


# ಕರ್ನಾಟಕ ವಿಧಾನಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 18-03-2021 ಪ್ರಶ್ನೆ ಸಂಖ್ಯೆ : 1312(1548)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಎಂ. ಎ. ಗೋಪಾಲಸ್ವಾಮಿ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 18-03-2021

ಉತ್ತರಿಸುವ ಸಚಿವರು: ಮಾನ್ಯ ಮುಖ್ಯಮಂತ್ರಿಗಳು

ವಿಷಯ : ಸಣ್ಣ ಮತ್ತು ಮಧ್ಯಮ ಕೈಗಾರಿಕೆಗಳಿಗೆ ಹಣಕಾಸಿನ ಸೌಲಭ್ಯಗಳ ಬಗ್ಗೆ

(ಅ) ಕರ್ನಾಟಕ ರಾಜ್ಯ ಹಣಕಾಸು ಸಂಸ್ಥೆಯ ಮೂಲಕ ರಾಜ್ಯದ ಅತಿ ಸಣ್ಣ, ಸಣ್ಣ ಮತ್ತು ಮಧ್ಯಮ ಪ್ರಮಾಣದ ಕೈಗಾರಿಕೆಗಳ ದೀರ್ಘಾವಧಿ ಹಣದ ಅಗತ್ಯತೆಗಳನ್ನು ಪೂರೈಸಲು ನೆರವು ಒದಗಿಸಲಾಗುತ್ತಿದೆಯೇ; ಹಾಗಿದ್ದಲ್ಲಿ, ಕಳೆದ 3 ವರ್ಷಗಳಲ್ಲಿ ಎಷ್ಟು ಕೈಗಾರಿಕೆಗಳಿಗೆ ನೆರವು ಒದಗಿಸಲಾಗಿದೆ; ಜಿಲ್ಲಾವಾರು ವಿವರ ನೀಡುವುದು;

(ಆ) ಈ ಸಂಸ್ಥೆಯ ಮೂಲಕ ಸಮಾಜದ ದುರ್ಬಲ ವರ್ಗಗಳ ಉದ್ಯಮಿಗಳಿಗೆ / ಮೊದಲ ಪೀಳಿಗೆ ಉದ್ಯಮಿಗಳಿಗೆ ಸಹಾಯ ಮಾಡಲು ಯಾವ ಯಾವ ಯೋಜನೆಗಳನ್ನು ರೂಪಿಸಲಾಗಿದೆ; ಆದೇಶ ಸಹಿತ ಯೋಜನಾವಾರು ಸಂಪೂರ್ಣ ವಿವರ ನೀಡುವುದು;

(ಇ) ಸಂಸ್ಥೆಯ ಯೋಜನೆಗಳು ಹಾಗೂ ಸವಲತ್ತುಗಳ ಬಗ್ಗೆ ಗ್ರಾಮೀಣ ಭಾಗದಲ್ಲಿ ಸರಿಯಾದ ಮಾಹಿತಿ ಇಲ್ಲದೇ ಅತಿ ಸಣ್ಣ, ಸಣ್ಣ ಮತ್ತು ಮಧ್ಯಮ ಪ್ರಮಾಣದ ಉದ್ದಿಮೆದಾರರರು ಸೌಲಭ್ಯ ವಂಚಿತಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಹಾಗಿದ್ದಲ್ಲಿ, ಈ ಸಂಸ್ಥೆಯಿಂದ ದೊರೆಯುವ ಸವಲತ್ತುಗಳ ಬಗ್ಗೆ ಪ್ರಚಾರ ಮಾಡಲು ಸರ್ಕಾರ ಕೈಗೊಂಡಿರುವ ಕ್ರಮಗಳೇನು? (ವಿವರ ನೀಡುವುದು)